# ಕರ್ನಾಟಕ ವಿಧಾನ ಪರಿಷತ್ತು

| | | |
|---|---|---|
| ಚುಕ್ಕೆ ಗುರುತಿಲ್ಲದ ಪ್ರಶ್ನೆ ಸಂಖ್ಯೆ | : | 1690 |
| ಮಾನ್ಯ ಸದಸ್ಯರು ಹೆಸರು | : | ಶ್ರೀ ಮುನಿರಾಜು ಗೌಡ ಪಿ. ಎಂ.,<br>(ವಿಧಾನ ಸಭೆಯಿಂದ ಚುನಾಯಿತರಾದವರು) |
| ಉತ್ತರಿಸಬೇಕಾದ ದಿನಾಂಕ | : | 14/03/2022 |
| ಉತ್ತರಿಸುವ ಸಚಿವರು | : | ಆರೋಗ್ಯ ಮತ್ತು ಕುಟುಂಬ ಕಲ್ಯಾಣ ಹಾಗೂ ವೈದ್ಯಕೀಯ ಶಿಕ್ಷಣ ಸಚಿವರು. |

| ಕ್ರ. ಸಂ. | ಪ್ರಶ್ನೆ | ಉತ್ತರ |
|---|---|---|
| ಅ) | ರಾಜ್ಯದಲ್ಲಿ ಗ್ರಾಮೀಣ ಪ್ರದೇಶಗಳ ಆಸ್ಪತ್ರೆಗಳಿಗೆ ಸ್ಥಳ ನಿಯೋಜನೆಗೊಳ್ಳುವ ಸರ್ಕಾರಿ ವೈದ್ಯರುಗಳು ಆಸ್ಪತ್ರೆಗಳು ಇರುವ ಸ್ಥಳಗಳಲ್ಲಿ ವಾಸಿಸದಿರುವ ಕಾರಣದಿಂದ ಸಮಯಕ್ಕೆ ಸರಿಯಾಗಿ ಆಸ್ಪತ್ರೆಗಳಲ್ಲಿ ಲಭ್ಯವಿಲ್ಲದೆ ಆಸ್ಪತ್ರೆಗಳಿಗೆ ಬರುವ ರೋಗಿಗಳು ತೊಂದರೆಗೆ ಒಳಗಾಗುತ್ತಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ; | ಬಂದಿದೆ. |
| ಆ) | ಬಂದಿದ್ದಲ್ಲಿ, ಗ್ರಾಮೀಣ ಪ್ರದೇಶದ ಆಸ್ಪತ್ರೆಗಳಿಗೆ ನೇಮಿಸಲಾಗುವ ಸರ್ಕಾರಿ ವೈದ್ಯರುಗಳು ಕರ್ತವ್ಯದ ವೇಳೆಯಲ್ಲಿ ಆಸ್ಪತ್ರೆಗಳಲ್ಲಿ ಲಭ್ಯವಿರುವಂತೆ ಮಾಡುವ ನಿಟ್ಟಿನಲ್ಲಿ ಸರ್ಕಾರವು ಕೈಗೊಳ್ಳುತ್ತಿರುವ ಆಡಳಿತಾತ್ಮಕ ಕ್ರಮಗಳೇನು; | ಗ್ರಾಮೀಣ ಪ್ರದೇಶಗಳ ಆಸ್ಪತ್ರೆಗಳಿಗೆ ನೇಮಕಗೊಳ್ಳುವ ವೈದ್ಯರುಗಳು ನಿಯೋಜಿತ ಸ್ಥಳಗಳಲ್ಲಿ ಸರಿಯಾದ ಸಮಯದಲ್ಲಿ ಹಾಜರಿರಲು ಬಯೋಮೆಟ್ರಿಕ್ ಅಳವಡಿಸಿ ಕರ್ತವ್ಯ ನಿರ್ವಹಿಸುವಂತೆ ಕ್ರಮ ಕೈಗೊಳ್ಳಲಾಗಿದೆ.<br><br>ರಾಜ್ಯದ ವಸತಿಗೃಹಗಳು ಇಲ್ಲದ ಕಡೆಗಳಲ್ಲಿರುವ ಪ್ರಾಥಮಿಕ ಆರೋಗ್ಯ ಕೇಂದ್ರ ಮತ್ತು ಸಮುದಾಯ ಆರೋಗ್ಯ ಕೇಂದ್ರಗಳಲ್ಲಿ ಕರ್ತವ್ಯ ನಿರ್ವಹಿಸುವ ವೈದ್ಯರುಗಳಿಗೆ ಮನೆ ಬಾಡಿಗೆ ಭತ್ಯೆಯ ಜೊತೆಗೆ ಹೆಚ್ಚುವರಿಯಾಗಿ ವಿಶೇಷ ಭತ್ಯೆ ನೀಡಲಾಗುತ್ತಿದೆ.<br><br>ಗ್ರಾಮೀಣ ಪ್ರದೇಶದಲ್ಲಿ ಕಾರ್ಯನಿರ್ವಹಿಸುತ್ತಿರುವ ಸಾಮಾನ್ಯ ಕರ್ತವ್ಯ ವೈದ್ಯಾಧಿಕಾರಿಗಳಿಗೆ ಗ್ರಾಮೀಣ ಭತ್ಯೆ/ಅರ್ಹತೆ ಅನುಸಾರ ಸೂಪರ್ ಸ್ಪೆಷಾಲಿಟಿ ಭತ್ಯೆ, ತುರ್ತು ಚಿಕಿತ್ಸಾ ಭತ್ಯೆ ನೀಡಲಾಗುತ್ತಿದೆ.<br><br>ಗ್ರಾಮೀಣ ಪ್ರದೇಶದ ಸಾರ್ವಜನಿಕರಿಗೆ ಆರೋಗ್ಯದ ಹಿತದೃಷ್ಟಿಯಿಂದ ಸರ್ಕಾರವು ಗ್ರಾಮೀಣ ಪ್ರದೇಶದಲ್ಲಿ ಸೇವೆ ಸಲ್ಲಿಸುವ ವೈದ್ಯರುಗಳಿಗೆ ವಿಶೇಷ ಭತ್ಯೆಗಳನ್ನು ಮಂಜೂರು ಮಾಡುವ ಮೂಲಕ ಪ್ರೋತ್ಸಾಹಿಸಲಾಗುತ್ತಿದೆ. |
| ಇ) | ಗ್ರಾಮೀಣ ಪ್ರದೇಶಗಳ ಆಸ್ಪತ್ರೆಗಳಿಗೆ ನೇಮಕಗೊಳ್ಳುವ ವೈದ್ಯರುಗಳು ನಿಯೋಜಿತ ಸ್ಥಳಗಳಲ್ಲಿ ವಾಸಿಸಲು ಸುಸೂತ್ರವಾಗಿ ಕರ್ತವ್ಯ ನಿರ್ವಹಿಸುವಂತೆ ಪ್ರೋತ್ಸಾಹಿಸಲು ಸರ್ಕಾರ ಕೈಗೊಂಡಿರುವ ಕ್ರಮಗಳೇನು? | |

**ಆಕುಕ 30 ಹೆಚ್‌ಎಸ್‌ಡಿ 2022**

(ಡಾ|| ಕೆ. ಸುಧಾಕರ್)
ಆರೋಗ್ಯ ಮತ್ತು ಕುಟುಂಬ ಕಲ್ಯಾಣ
ಹಾಗೂ ವೈದ್ಯಕೀಯ ಶಿಕ್ಷಣ ಸಚಿವರು.